KA / BG-GPO / 2515 / WPP-47 / 2009-2011

# ಕರ್ನಾಟಕ ರಾಜ್ಯಪತ್ರ

**ಅಧಿಕೃತವಾಗಿ ಪ್ರಕಟಿಸಲಾದುದು**

| ಸಂಪುಟ ೧೪೬ | ಬೆಂಗಳೂರು, ಗುರುವಾರ, ಫೆಬ್ರವರಿ ೨೪, ೨೦೧೧ (ಫಾಲ್ಗುಣ ೫, ಶಕ ವರ್ಷ ೧೯೩೨) | ಸಂಚಿಕೆ ೮ |
|---|---|---|

## ಭಾಗ – ೪ಎ

## ರಾಜ್ಯದ ವಿಧೇಯಕಗಳ ಮತ್ತು ಅವುಗಳ ಮೇಲೆ ಪರಿಶೀಲನಾ ಸಮಿತಿಯ ವರದಿಗಳು, ರಾಜ್ಯದ ಅಧಿನಿಯಮಗಳು ಮತ್ತು ಅಧ್ಯಾದೇಶಗಳು, ಕೇಂದ್ರದ ಮತ್ತು ರಾಜ್ಯದ ಶಾಸನಗಳ ಮೇರೆಗೆ ರಾಜ್ಯ ಸರ್ಕಾರವು ಹೊರಡಿಸಿದ ಸಾಮಾನ್ಯ ಶಾಸನಬದ್ಧ ನಿಯಮಗಳು ಮತ್ತು ರಾಜ್ಯಾಂಗದ ಮೇರೆಗೆ ರಾಜ್ಯಪಾಲರು ಮಾಡಿದ ನಿಯಮಗಳು, ಹಾಗೂ ಕರ್ನಾಟಕ ಉಚ್ಚ ನ್ಯಾಯಾಲಯವು ಮಾಡಿದ ನಿಯಮಗಳು.

**ಕಾರ್ಮಿಕ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಕಾಇ 66 ಎಲ್ಎಂಡಬ್ಲ್ಯೂ 2007, ಬೆಂಗಳೂರು, ದಿನಾಂಕ:06–01–2011**

ಕರ್ನಾಟಕ ರಾಜ್ಯಾದ್ಯಂತ "**ಸ್ಟೀಲ್ ಅಲ್ಮೇರಾ, ಟೇಬಲ್, ಕುರ್ಚಿ ಇತ್ಯಾದಿ ಪೀಠೋಪಕರಣಗಳ**" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನವನ್ನು ಪರಿಷ್ಕರಿಸಲು ಸರ್ಕಾರದ ಕರಡು ಪ್ರಸ್ತಾವನೆಯನ್ನು ಕರ್ನಾಟಕ ರಾಜ್ಯ ಪತ್ರದ ವಿಶೇಷ ಪತ್ರಿಕೆ ಭಾಗ–4 [ಎ], ರಲ್ಲಿ ದಿ: 07–10–2008 ರಂದು ಪ್ರಕಟಿಸಿ, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಪ್ರಕಾರ ಇದರಿಂದ ಭಾಧಿತರಾಗುವ/ಸಂಬಂಧವಿರುವ ವ್ಯಕ್ತಿಗಳ ಗಮನಕ್ಕೆ ತರಲಾಗಿದ್ದು, ಅವರಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲು 2 ತಿಂಗಳ ಕಾಲಾವಧಿಯನ್ನು ನೀಡಲಾಗಿತ್ತು. ಈ ಅವಧಿಯಲ್ಲಿ ಯಾವುದೇ ಸಲಹೆ/ಆಕ್ಷೇಪಣೆಗಳು ಸರ್ಕಾರದಲ್ಲಿ ಸ್ವೀಕೃತವಾಗಿರುವುದಿಲ್ಲ. ಕರಡು ಪ್ರಸ್ತಾವನೆಯನ್ನು ಕನಿಷ್ಠ ವೇತನ ಸಲಹಾ ಮಂಡಳಿಯ ಮುಂದೆ ಮಂಡಿಸಲಾಗಿತ್ತು. ಸದರಿ ಮಂಡಳಿಯಲ್ಲಿ ಸರ್ಕಾರದ ಪ್ರಸ್ತಾವನೆಯನ್ನು ಸುಧೀರ್ಘವಾಗಿ ಸಮಾಲೋಚಿಸಿ ಅಂತಿಮ ಅಧಿಸೂಚನೆಯನ್ನು ಹೊರಡಿಸಲು ಮಂಡಳಿಯು ಸರ್ಕಾರಕ್ಕೆ ತನ್ನ ಶಿಫಾರಸ್ಸನ್ನು ನೀಡಿರುತ್ತದೆ.

ಕರ್ನಾಟಕ ರಾಜ್ಯ ಕನಿಷ್ಠ ವೇತನ ಸಲಹಾ ಮಂಡಳಿಯ ಶಿಫಾರಸ್ಸನ್ನು ಪರಿಗಣನೆಗೆ ತೆಗೆದುಕೊಂಡು, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 3ನೇ ಪ್ರಕರಣದ [1] ನೇ ಉಪ ಪ್ರಕರಣದ (ಬಿ) ಖಂಡ ಹಾಗೂ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಮೂಲಕ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಮತ್ತು ಈ ಹಿಂದಿನ ಎಲ್ಲಾ ಅಧಿಸೂಚನೆಗಳನ್ನು ರದ್ದುಪಡಿಸಿ ಕರ್ನಾಟಕ ರಾಜ್ಯಾದ್ಯಂತ "**ಸ್ಟೀಲ್ ಅಲ್ಮೇರಾ, ಟೇಬಲ್, ಕುರ್ಚಿ ಇತ್ಯಾದಿ ಪೀಠೋಪಕರಣಗಳ**" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ದಿನಾಂಕ: 1–4–2010 ರಿಂದ ಅನ್ವಯವಾಗುವಂತೆ ಕನಿಷ್ಠ ವೇತನವನ್ನು ಈ ಅಧಿಸೂಚನೆಯ ಅನುಸೂಚಿಯಲ್ಲಿ ಇರುವಂತೆ ಪರಿಷ್ಕರಿಸಲಾಗಿದೆ.

**ಅನುಸೂಚಿ**

| ಕ್ರ.ಸಂ. | ಕೆಲಸದ ವರ್ಗಗಳು | ಕನಿಷ್ಠ ವೇತನ ಪ್ರತಿ ತಿಂಗಳಿಗೆ | | |
|---|---|---|---|---|
| | | ವಲಯ–1 | ವಲಯ–2 | ವಲಯ–3 |
| 1 | 2 | 3 | 4 | 5 |
| | | ₹ | ₹ | ₹ |
| **1. ಕುಶಲ ಕಾರ್ಮಿಕರು–ಅ** | | | | |
| 1 | ಸೂಪರ್ ವೈಸರ್ | 4047 | 3981 | 3947 |

| | | | | |
|---|---|---|---|---|
| **2. ಕುಶಲ ಕಾರ್ಮಿಕರು–ಆ** | | | | |
| 1 | ಫಿಟ್ಟರ್ | 3881 | 3815 | 3783 |
| 2 | ಮೆಕ್ಯಾನಿಕ್ | | | |
| 3 | ಪ್ರೆಸ್ಸರ್ | | | |
| 4 | ಟರ್ನರ್ | | | |
| 5 | ಬೆಂಡರ್ | | | |
| 6 | ಟಿಂಕರ್ | | | |
| 7 | ಫ್ಯಾಬ್ರಿಕೇಟರ್ಸ್ | | | |
| 8 | ಪೇಯಿಂಟರ್/ಡಿಸೈನರ್/ ಸ್ಪ್ರೇಯರ್/ಪಾಲಿಷರ್ | | | |
| 9 | ಶೀಟ್ ಮೆಟಲ್ ಕಟ್ಟರ್ ಮತ್ತು ಮಾರ್ಕ್ ಮಾಡುವವರು | 3881 | 3815 | 3783 |
| 10 | ಅಲ್ಮೇರಾ ತಯಾರಿಕೆ / ಬಾಡಿ ಮೇಕರ್ಸ್/ ಮಂಚ, ಬೆಂಚು, ಕುರ್ಚಿ ಟೇಬಲ್ ಇನ್ನಿತರ ಪೀಠೋಪಕರಣಗಳು | | | |
| **3. ಅರೆ ಕುಶಲ ಕಾರ್ಮಿಕರು** | | | | |
| 1 | ಸಹಾಯಕ ವೆಲ್ಡರ್ | 3716 | 3650 | 3617 |
| 2 | ಸಹಾಯಕ ಬೆಂಡರ್ | | | |
| 3 | ಸಹಾಯಕ ಫಿಟ್ಟರ್ | | | |
| 4 | ಸಹಾಯಕ ಮೆಕ್ಯಾನಿಕ್ ಇತರೇ ಅರೆ ಕುಶಲ ಕಾರ್ಮಿಕರು | | | |
| **4. ಕುಶಲರಲ್ಲದ ಕಾರ್ಮಿಕರು** | | | | |
| 1 | ಮಜ್ದೂರ್ | 3471 | 3460 | 3454 |
| 2 | ಹೆಲ್ಪರ್ಸ್ | | | |
| 3 | ಕ್ಲೀನರ್ಸ್ | | | |
| 4 | ಸಹಾಯಕರು ಇತರೇ ಕುಶಲರಲ್ಲದ ಕಾರ್ಮಿಕರು | | | |
| **5. ಕಛೇರಿ ಸಿಬ್ಬಂದಿ** | | | | |
| 1 | ಗುಮಾಸ್ತ | 3575 | 3509 | 3476 |
| 2 | ಬೆರಳಚ್ಚುಗಾರರು | | | |
| 3 | ಪ್ಯೂನ್ | 3471 | 3460 | 3454 |
| 4 | ಆಫೀಸ್ ಬಾಯ್ | | | |

**ತುಟ್ಟಿಭತ್ಯೆ:**

ಈ ಅಧಿಸೂಚನೆಯಲ್ಲಿ ಸೂಚಿಸಿರುವ ದರಗಳನ್ನು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಆಧಾರದ ಮೇಲೆ ಗ್ರಾಹಕ ಬೆಲೆ ಸೂಚ್ಯಾಂಕದಲ್ಲಿ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 3 ಪೈಸೆಯಂತೆ ತುಟ್ಟಿಭತ್ಯೆ ನೀಡತಕ್ಕದ್ದು.

ತುಟ್ಟಿಭತ್ಯೆಯ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ

ಸೂಚ್ಯಾಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಎಪ್ರಿಲ್ 1ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

1. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿದಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಮಾಸಿಕ ವೇತನವನ್ನು ಪಡೆಯುವವರು:– ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x 30 ದಿನಗಳು= ತುಟ್ಟಿಭತ್ಯೆ

2. ಮಹಿಳೆಯರು ಮತ್ತು ಪುರುಷರು ಒಂದೇ ರೀತಿಯ ಕೆಲಸವನ್ನು ನಿರ್ವಹಿಸಿದ ಸಂದರ್ಭಗಳಲ್ಲಿ ಉಭಯತ್ರರಿಗೂ ಸಮಾನ ದರದ ವೇತನಗಳನ್ನು ಸಂದಾಯ ಮಾಡತಕ್ಕದ್ದು.
3. ಪ್ರಸ್ತುತ ಪಾವತಿಸುತ್ತಿರುವ ವೇತನ ದರವು ಹೆಚ್ಚಾಗಿದ್ದಲ್ಲಿ ಆ ಹೆಚ್ಚಾಗಿರುವ ದರಗಳ ವೇತನವನ್ನು ಸಂದಾಯ ಮಾಡುವುದನ್ನು ಮುಂದುವರೆಸತಕ್ಕದ್ದು.
4. ಅಧಿಸೂಚನೆಯಲ್ಲಿ ವರ್ಗವನ್ನು ನಮೂದಿಸದೆ ಇರುವ ವರ್ಗಗಳ ಕಾರ್ಮಿಕರಿಗೆ ಅದೇ ಸ್ವರೂಪದ ಕೆಲಸ ನಿರ್ವಹಿಸುತ್ತಿರುವ ಇತರೆ ವರ್ಗದ ಕಾರ್ಮಿಕರಿಗೆ ಪಾವತಿ ಮಾಡುತ್ತಿರುವ ವೇತನವನ್ನು ಸಂದಾಯ ಮಾಡತಕ್ಕದ್ದು.
5. ತುಂಡು ಆಧಾರದ ಮೇಲೆ ಕೆಲಸ ಮಾಡುವ ಕಾರ್ಮಿಕರ 8 ಗಂಟೆಗಳ ಕೆಲಸದ ವೇತನವು ಅದೇ ತರಹದ ಕೆಲಸಮಾಡುವ ಕಾರ್ಮಿಕರ ಒಂದು ದಿನದ ವೇತನಕ್ಕಿಂತ ಕಡಿಮೆ ಇರಕೂಡದು. ಒಂದು ದಿನದ ಕೆಲಸ ಎಂದರೆ 8 ಗಂಟೆಗಳ ಕೆಲಸ ಎಂದು ತಿಳಿಯತಕ್ಕದ್ದು. ಕಾರ್ಮಿಕರನ್ನು 8 ಗಂಟೆಗಳಿಗಿಂತ ಕಡಿಮೆ ಅವಧಿಯ ಕೆಲಸಕ್ಕೆ ನೇಮಿಸಿಕೊಂಡರೆ ಅಂತಹ ಕಡಿಮೆ ಅವಧಿಗೆ ಅನುಗುಣವಾಗಿ ವೇತನವನ್ನು ಆ ವರ್ಗದ ದಿನದ ಅಥವಾ ತಿಂಗಳ ವೇತನದ ಆಧಾರದ ಮೇಲೆ ಲೆಕ್ಕ ಹಾಕುವುದು.
6. ದಿನಗೂಲಿ ನೌಕರರಿಗೆ ಅವರ ದಿನದ ವೇತನ ದರಗಳನ್ನು ಕಂಡು ಹಿಡಿಯಬೇಕಾದಲ್ಲಿ ತಿಂಗಳ ವೇತನ ದರವನ್ನು 26 ರಿಂದ ಭಾಗಿಸಬೇಕು. ಭಾಗಿಸಿದಾಗ ಬಂದ ದರವು ಭಿನ್ನಾಂಕವಾಗಿದ್ದಲ್ಲಿ ಅದನ್ನು ಸಮೀಪದ ರೂಪಾಯಿಗೆ ಪೂರ್ಣಗೊಳಿಸಬೇಕು.
7. ಸಂಸ್ಥೆಯಲ್ಲಿ ನಿಗದಿಪಡಿಸಿರುವ ವಾರದ ರಜೆ ಅಥವಾ ಹಬ್ಬದ ರಜಾ ದಿನಗಳಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನ ಕಾಯ್ದೆ ಮತ್ತು ನಿಯಮಗಳಿಗೆ ಒಳಪಟ್ಟು ಸಾಮಾನ್ಯ ವೇತನದ ಎರಡುಪಟ್ಟು ವೇತನವನ್ನು ಪಾವತಿ ಮಾಡತಕ್ಕದ್ದು.
8. ಕೆಲಸಗಾರರು ದಿನದ ನಿಗಧಿತ ಅವಧಿಗಿಂತ ಹೆಚ್ಚು ಸಮಯ ಕೆಲಸ ನಿರ್ವಹಿಸಿದಲ್ಲಿ ಅಂತಹ ಹೆಚ್ಚುವರಿ ಅವಧಿ ಕೆಲಸಕ್ಕೆ ಆತನ ವೇತನದ ಎರಡುಪಟ್ಟು ವೇತನವನ್ನು ಪಾವತಿಸತಕ್ಕದ್ದು.
9. ವೇತನ ಲೆಕ್ಕಾಚಾರದಲ್ಲಿ ಚಿಲ್ಲರೆ ಬಂದ ಪಕ್ಷದಲ್ಲಿ ಅದನ್ನು ಸಮೀಪದ 50 ಪೈಸೆಗೆ ಪೂರ್ಣಗೊಳಿಸುವುದು.
10. ಅಪ್ರೆಂಟೀಸ್‌ಗಳಿಗೆ ಆ ವರ್ಗದ ನೌಕರರು ಪಡೆಯುತ್ತಿರುವ ವೇತನದ ಪ್ರತಿಶತ 75 ರಷ್ಟು ವೇತನವನ್ನು ಶಿಷ್ಯ ವೇತನವನ್ನಾಗಿ ಪಾವತಿಸತಕ್ಕದ್ದು.
11. **ಕುಶಲ** : ಸ್ವತಂತ್ರವಾಗಿ, ಪರಿಣಾಮಕಾರಿಯಾಗಿ ಮತ್ತು ಕೆಲಸವನ್ನು ಸರಿಯಾಗಿ ಮಾಡಬಲ್ಲ ಸಾಮರ್ಥ್ಯವುಳ್ಳ ಕಾರ್ಮಿಕ, ಅವಶ್ಯವಿದ್ದರೆ ಸರಳವಾದ ನಕ್ಷೆಗಳನ್ನು ಓದಿ ಮತ್ತು ಕೆಲಸ ಮಾಡುವ ಸಾಮರ್ಥ್ಯವುಳ್ಳವನಾಗಿರಬೇಕು.
12. **ಅರೆ ಕುಶಲ** : ತನ್ನ ಕಸುಬಿನ ಬಗ್ಗೆ ಸಾಕಷ್ಟು ಜ್ಞಾನವಿರುವ ಹಾಗೂ ಪುನರಾವರ್ತನೆ ಕೆಲಸ ಮಾಡುವ ಸಾಮರ್ಥ್ಯವುಳ್ಳ ಹಾಗೂ ಯಂತ್ರ ಉಪಕರಣಗಳ ಸಹಾಯದಿಂದ ಸರಳವಾದ ಕೆಲಸಗಳನ್ನು ಮಾಡಬಲ್ಲವರು.
13. **ಕುಶಲರಲ್ಲದವರು** : ಸ್ವತಂತ್ರವಾದ ನಿರ್ಣಯದ ಅವಶ್ಯಕತೆಯಿಲ್ಲದೆ ಅಥವಾ ಹಿಂದಿನ ಅನುಭವ ಇಲ್ಲದೆ ಆದರೆ ಉದ್ಯೋಗದ ವಾತಾವರಣದ ಪರಿಚಯವಿರುವ ಕೆಲಸ ಮಾಡುವುದು, ದೈಹಿಕ ಪರಿಶ್ರಮವಿಲ್ಲದೆ ವಿವಿಧ ರೀತಿಯ ವಸ್ತುಗಳು ಮತ್ತು ಸಾಮಾನುಗಳ ಜ್ಞಾನವಿರುವ ಕೆಲಸವನ್ನು ಮಾಡುವವರು.
14. ಯಾವುದೇ ಯಂತ್ರಗಳನ್ನು ನಡೆಸಲು ನೇಮಿಸಿರುವ ಕಾರ್ಮಿಕರನ್ನು ಕುಶಲರಲ್ಲದ ವರ್ಗಕ್ಕೆ ಸೇರಿಸಬಾರದು. ಕಾವಲುಗಾರ, ಸಿಪಾಯಿ ಚೌಕಿದಾರ, ಕಸಗುಡಿಸುವವರು, ಜಾಡಮಾಲಿ ಹಾಗೂ ಅದೇ ತರಹದ ಕೆಲಸ ಮಾಡುವ ಕಾರ್ಮಿಕರನ್ನು ಕುಶಲರಲ್ಲದ ವರ್ಗಕ್ಕೆ ಸೇರಿಸುವುದು.

ವಲಯ–1: ಬೆಂಗಳೂರು ಮಹಾನಗರ ಪಾಲಿಕೆಯ ಪ್ರದೇಶಗಳು ಮತ್ತು ಗೊತ್ತುಪಡಿಸಿದ ಆಗ್ಲೋಮರೇಷನ್ ಪ್ರದೇಶಗಳು

ವಲಯ–2: ಜಿಲ್ಲಾ ಕೇಂದ್ರ ಪ್ರದೇಶಗಳು ಮತ್ತು ಅದಕ್ಕೆ ಗೊತ್ತುಪಡಿಸಿದ ಆಗ್ಲೋಮರೇಷನ್ ಪ್ರದೇಶಗಳು

ವಲಯ–3: ವಲಯ 1 ಮತ್ತು 2 ರಲ್ಲಿ ನಮೂದಿಸದೆ ಇರುವ ರಾಜ್ಯದ ಇತರೆ ಪ್ರದೇಶಗಳು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್.ಆರ್. ಪ್ರಭು**

ಪಿ.ಆರ್.54

ಸರ್ಕಾರದ ಅಧೀನ ಕಾರ್ಯದರ್ಶಿ

ಕಾರ್ಮಿಕ ಇಲಾಖೆ.

**ಕಾರ್ಮಿಕ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಕಾಇ 69 ಎಲ್‌ಎಂಡಬ್ಲ್ಯೂ 2010, ಬೆಂಗಳೂರು, ದಿನಾಂಕ: 06–01–2011**

ಕರ್ನಾಟಕ ರಾಜ್ಯಾದ್ಯಂತ **"ಮೆಟಲ್ ರೋಲಿಂಗ್ ರೀ–ರೋಲಿಂಗ್ (ಪೆರಸ್)"** ಉದ್ದಿಮೆಗಳಲ್ಲಿ ಯಾವುದೇ ಕೆಲಸದಲ್ಲಿ ತೊಡಗಿರುವ ಕಾರ್ಮಿಕರಿಗೆ ಕೆಳಕಂಡ ಅನುಸೂಚಿಯಲ್ಲಿ ನಿರ್ಧಿಷ್ಟಪಡಿಸಿರುವಂತೆ ಕನಿಷ್ಠ ವೇತನವನ್ನು ಪರಿಷ್ಕರಿಸಲು ಸರ್ಕಾರವು ತೀರ್ಮಾನಿಸಿದೆ. ಕನಿಷ್ಠ ವೇತನ ಕಾಯ್ದೆ 1948 ರ (ಕೇಂದ್ರಾಧಿನಿಯಮ ಸಂಖ್ಯೆ: XI) ಸೆಕ್ಷನ್ 3(1)(ಬಿ) ಮತ್ತು 5(1)(ಬಿ) ರಡಿಯಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಈ ಅಧಿಸೂಚನೆಯನ್ನು ಪ್ರಕಟಿಸಲಾಗಿದೆ. ಈ ಕರಡು ಪ್ರಸ್ತಾವನೆಯನ್ನು ಕರ್ನಾಟಕ ರಾಜ್ಯ ಪತ್ರದಲ್ಲಿ ಪ್ರಕಟಿಸಿದ ದಿನಾಂಕದಿಂದ 2 ತಿಂಗಳ ಅವಧಿಯೊಳಗೆ ಭಾದಿತರಾಗುವ ವ್ಯಕ್ತಿಗಳಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲಾಗುವುದು. ತದನಂತರ ಬಂದ ಸಲಹೆ/ಆಕ್ಷೇಪಣೆಗಳನ್ನು ಪರಿಗಣಿಸಲಾಗುವುದಿಲ್ಲ. ಸಲಹೆ/ಆಕ್ಷೇಪಣೆಗಳೇನಾದರೂ ಇದ್ದಲ್ಲಿ ಅದನ್ನು ಸರ್ಕಾರದ ಕಾರ್ಯದರ್ಶಿ, ಕಾರ್ಮಿಕ ಇಲಾಖೆ, ವಿಕಾಸ ಸೌಧ, ಬೆಂಗಳೂರು ಇವರಿಗೆ ಅಥವಾ ಕಾರ್ಮಿಕ ಅಯುಕ್ತರು, ಕಾರ್ಮಿಕ ಭವನ, ಬನ್ನೇರುಘಟ್ಟ ರಸ್ತೆ, ಬೆಂಗಳೂರು–29 ಇಲ್ಲಿಗೆ ಸಲ್ಲಿಸಬಹುದಾಗಿರುತ್ತದೆ.

ಕನಿಷ್ಠ ವೇತನ ಕಾಯ್ದೆ, 1948ರ ಸೆಕ್ಷನ್ 3(1)(ಬಿ) ಮತ್ತು 5(1)(ಬಿ)ರಡಿಯಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಈ ಕೆಳಕಂಡ ಅನುಸೂಚಿಯಲ್ಲಿ ನಿರ್ಧಿಷ್ಟಪಡಿಸಿರುವಂತೆ, ಕರ್ನಾಟಕ ರಾಜ್ಯಾದ್ಯಾಂತ ಯಾವುದೇ **"ಮೆಟಲ್ ರೋಲಿಂಗ್ ರೀ–ರೋಲಿಂಗ್ (ಪೆರಸ್) "** ಉದ್ದಿಮೆಯ ಯಾವುದೇ ಕೆಲಸದಲ್ಲಿ ತೊಡಗಿರುವ ವಿವಿಧ ಕಾರ್ಮಿಕ ವರ್ಗದವರಿಗೆ ವೇತನವನ್ನು ಈ ಕೆಳಕಂಡಂತೆ ಪರಿಷ್ಕರಿಸಲು ಪ್ರಸ್ತಾಪಿಸಿದೆ.

**ಅನುಸೂಚಿ**

| ಕ್ರ. ಸಂ | ಕೆಲಸದ ವರ್ಗಗಳು | ಕನಿಷ್ಠ ವೇತನ ದರಗಳು ಪ್ರತಿ ತಿಂಗಳಿಗೆ [ರೂಪಾಯಿಗಳಲ್ಲಿ] | |
|---|---|---|---|
| | | ವಲಯ–1 | ವಲಯ–2 |
| 1 | 2 | 3 | 4 |
| | **1. ಅತಿ ಕುಶಲ ಕಾರ್ಮಿಕರು** | | |
| 1 | ಪರ್ಸನಲ್ ಆಫೀಸರ್ | 4328–52 | 4255–75 |
| 2 | ಮ್ಯಾನೇಜರ್ (ಪ್ರೊಡಕ್ಷನ್) | | |
| 3 | ಫೋರ್‌ಮೆನ್ | | |
| 4 | ಸೂಪರ್‌ವೈಸರ್ | | |
| | **2. ಕುಶಲ ಕಾರ್ಮಿಕರು** | | |
| 1 | ಎಲೆಕ್ಟ್ರಿಷಿಯನ್ | 4145–92 | 4073–26 |
| 2 | ಫಿಟ್ಟರ್ | | |
| 3 | ಟರ್ನರ್ | | |
| 4 | ಆಪರೇಟರ್ | | |
| 5 | ಟೆಕ್ನಿಷಿಯನ್ | 4145–92 | 4073–26 |
| 6 | ಮೆಟಲ್ ಕ್ಯಾಷ್ಟರ್ | | |
| 7 | ಮೆಟಲ್ ರೋಲರ್ | | |
| 8 | ಶೇಪರ್‌ಮನ್ | | |
| 9 | ಮೆಟಲ್ ವೆಲ್ಡರ್ಸ್ | | |
| 10 | ವೆಲ್ಡರ್ಸ್ ಕಮ್ ಗ್ಯಾಸ್ ಕಟ್ಟರ್ | | |
| 11 | ಮೇಸ್ತ್ರಿ | | |
| 12 | ಕೆಮಿಷ್ಟ್ | | |
| 13 | ಬ್ಲಾಕ್ ಸ್ಮಿತ್ | | |
| 14 | ಬರ್ನರ್ | | |
| 15 | ಟಾಂಗ್ಸ್‌ಮನ್ | | |
| 16 | ಲ್ಯಾಬೋರೇಟರಿ ಇನ್‌ಚಾರ್ಜ್ | | |
| 17 | ಐರನ್‌ಗ್ಯಾಸ್ ಕಟ್ಟರ್ | | |
| 18 | ಇತರೆ ಕುಶಲ ಕೆಲಸಕ್ಕೆ | | |

| ಕ್ರ. ಸಂ | ಕೆಲಸದ ವರ್ಗಗಳು | ಕನಿಷ್ಠ ವೇತನ ದರಗಳು ಪ್ರತಿ ತಿಂಗಳಿಗೆ [ರೂಪಾಯಿಗಳಲ್ಲಿ] | |
|---|---|---|---|
| | | ವಲಯ–1 | ವಲಯ–2 |
| 1 | 2 | 3 | 4 |
| | **3. ಅರೆ ಕುಶಲ ಕಾರ್ಮಿಕರು** | | |
| 1 | ಸಹಾಯಕರು | 3964–69 | 3891–93 |
| 2 | ಲ್ಯಾಬೋರೇಟರಿ ಸಹಾಯಕರು | | |
| 3 | ಹ್ಯಾಮರ್‌ಮನ್ | | |
| 4 | ಫೈರ್‌ಮನ್ | | |
| 5 | ಡ್ರೈವರ್ | | |
| 6 | ಇತರೆ ಅರೆ ಕುಶಲ ಕಾರ್ಮಿಕರು | | |
| | **4. ಕುಶಲರಲ್ಲದವರು** | | |
| 1 | ಗ್ರೀಸನರ್ | 3694–42 | 3682–87 |
| 2 | ಹುಕ್‌ಮನ್ | | |
| 3 | ಲೋಡರ್ ಮತ್ತು ಅನ್‌ಲೋಡರ್, ಲೋಡರ್ ಅಂಡ್ ಬಂಡಲಿಂಗ್ | | |
| 4 | ಜನರಲ್ ವರ್ಕರ್ಸ್ | | |
| 5 | ವಾಚಮನ್ | | |
| 6 | ಹೆಲ್ಪರ್ | | |
| 7 | ಮಿಲ್ ವರ್ಕರ್ | | |
| 8 | ಎಂಡ್ ಕಟ್ಟಿಂಗ್ ಕಟ್ಟರ್ | | |
| 9 | ಸ್ಲೀಪರ್ ಮತ್ತು ಇತರೆ ಕುಶಲರಲ್ಲದ ಕಾರ್ಮಿಕರು | | |
| | **5. ಕಛೇರಿ ಸಿಬ್ಬಂದಿ** | | |
| 1 | ಮ್ಯಾನೇಜರ್ | 4000–50 | 3964–69 |
| 2 | ಅಕೌಟೆಂಟ್ | | |
| 3 | ಶೀಘ್ರಲಿಪಿಗಾರ | | |
| 4 | ಬೆರಳಚ್ಚುಗಾರ | | |
| 5 | ಗುಮಾಸ್ತ | 3809–92 | 3750–81 |
| 6 | ಆಫೀಸ್ ಬಾಯ್ | 3754–48 | 3682–87 |

**ತುಟ್ಟಿಭತ್ಯೆ:–**

ಈ ಅಧಿಸೂಚನೆಯಲ್ಲಿ ಪ್ರಕಟಿಸಿರುವ ದರಗಳು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 4 ಪೈಸೆಯಂತೆ ತುಟ್ಟಿ ಭತ್ಯೆ ನೀಡತಕ್ಕದ್ದು.

ತುಟ್ಟಿಭತ್ಯೆ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ ಸೂಚ್ಯಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಏಪ್ರಿಲ್ 1 ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

1. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿದಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಮಾಸಿಕ ವೇತನವನ್ನು ಪಡೆಯುವವರು:– ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x 30 ದಿನಗಳು= ತುಟ್ಟಿಭತ್ಯೆ

2. ಮಹಿಳೆಯರು ಮತ್ತು ಪುರುಷರು ಒಂದೇ ರೀತಿಯ ಕೆಲಸವನ್ನು ನಿರ್ವಹಿಸಿದ ಸಂದರ್ಭಗಳಲ್ಲಿ ಉಭಯತ್ರರಿಗೂ ಸಮಾನ ದರದ ವೇತನಗಳನ್ನು ಸಂದಾಯ ಮಾಡತಕ್ಕದ್ದು.

3. ಪ್ರಸ್ತುತ ಪಾವತಿಸುತ್ತಿರುವ ವೇತನ ದರವು ಹೆಚ್ಚಾಗಿದ್ದಲ್ಲಿ ಆ ಹೆಚ್ಚಾಗಿರುವ ದರಗಳ ವೇತನವನ್ನು ಸಂದಾಯ ಮಾಡುವುದನ್ನು ಮುಂದುವರೆಸತಕ್ಕದ್ದು.
4. ಅಧಿಸೂಚನೆಯಲ್ಲಿ ವರ್ಗವನ್ನು ನಮೂದಿಸದೆ ಇರುವ ವರ್ಗಗಳ ಕಾರ್ಮಿಕರಿಗೆ ಅದೇ ಸ್ವರೂಪದ ಕೆಲಸ ನಿರ್ವಹಿಸುತ್ತಿರುವ ಇತರೆ ವರ್ಗದ ಕಾರ್ಮಿಕರಿಗೆ ಪಾವತಿ ಮಾಡುತ್ತಿರುವ ವೇತನವನ್ನು ಸಂದಾಯ ಮಾಡತಕ್ಕದ್ದು.
5. ತುಂಡು ಆಧಾರದ ಮೇಲೆ ಕೆಲಸ ಮಾಡುವ ಕಾರ್ಮಿಕರ 8 ಗಂಟೆಗಳ ಕೆಲಸದ ವೇತನವು ಅದೇ ತರಹದ ಕೆಲಸಮಾಡುವ ಕಾರ್ಮಿಕರ ಒಂದು ದಿನದ ವೇತನಕ್ಕಿಂತ ಕಡಿಮೆ ಇರಕೂಡದು. ಒಂದು ದಿನದ ಕೆಲಸ ಎಂದರೆ 8 ಗಂಟೆಗಳ ಕೆಲಸ ಎಂದು ತಿಳಿಯತಕ್ಕದ್ದು. ಕಾರ್ಮಿಕರನ್ನು 8 ಗಂಟೆಗಳಿಗಿಂತ ಕಡಿಮೆ ಅವಧಿಯ ಕೆಲಸಕ್ಕೆ ನೇಮಿಸಿಕೊಂಡರೆ ಅಂತಹ ಕಡಿಮೆ ಅವಧಿಗೆ ಅನುಗುಣವಾಗಿ ವೇತನವನ್ನು ಆ ವರ್ಗದ ದಿನದ ಅಥವಾ ತಿಂಗಳ ವೇತನದ ಆಧಾರದ ಮೇಲೆ ಲೆಕ್ಕ ಹಾಕುವುದು.
6. ದಿನಗೂಲಿ ನೌಕರರಿಗೆ ಅವರ ದಿನದ ವೇತನ ದರಗಳನ್ನು ಕಂಡು ಹಿಡಿಯಬೇಕಾದಲ್ಲಿ ತಿಂಗಳ ವೇತನ ದರವನ್ನು 26 ರಿಂದ ಭಾಗಿಸಬೇಕು. ಭಾಗಿಸಿದಾಗ ಬಂದ ದರವು ಭಿನ್ನಾಂಕವಾಗಿದ್ದಲ್ಲಿ ಅದನ್ನು ಸಮೀಪದ ರೂಪಾಯಿಗೆ ಪೂರ್ಣಗೊಳಿಸಬೇಕು.
7. ಸಂಸ್ಥೆಯಲ್ಲಿ ನಿಗದಿಪಡಿಸಿರುವ ವಾರದ ರಜೆ ಅಥವಾ ಹಬ್ಬದ ರಜಾ ದಿನಗಳಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನ ಕಾಯ್ದೆ ಮತ್ತು ನಿಯಮಗಳಿಗೆ ಒಳಪಟ್ಟು ಸಾಮಾನ್ಯ ವೇತನದ ಎರಡುಪಟ್ಟು ವೇತನವನ್ನು ಪಾವತಿ ಮಾಡತಕ್ಕದ್ದು.
8. ಕೆಲಸಗಾರರು ದಿನದ ನಿಗಧಿತ ಅವಧಿಗಿಂತ ಹೆಚ್ಚು ಸಮಯ ಕೆಲಸ ನಿರ್ವಹಿಸಿದಲ್ಲಿ ಅಂತಹ ಹೆಚ್ಚುವರಿ ಅವಧಿ ಕೆಲಸಕ್ಕೆ ಆತನ ವೇತನದ ಎರಡುಪಟ್ಟು ವೇತನವನ್ನು ಪಾವತಿಸತಕ್ಕದ್ದು.
9. ವೇತನ ಲೆಕ್ಕಾಚಾರದಲ್ಲಿ ಚಿಲ್ಲರೆ ಬಂದ ಪಕ್ಷದಲ್ಲಿ ಅದನ್ನು ಸಮೀಪದ 50 ಪೈಸೆಗೆ ಪೂರ್ಣಗೊಳಿಸುವುದು.
10. ಅಪ್ರೆಂಟೀಸ್‌ಗಳಿಗೆ ಆ ವರ್ಗದ ನೌಕರರು ಪಡೆಯುತ್ತಿರುವ ವೇತನದ ಪ್ರತಿಶತ 75 ರಷ್ಟು ವೇತನವನ್ನು ಶಿಷ್ಯ ವೇತನವನ್ನಾಗಿ ಪಾವತಿಸತಕ್ಕದ್ದು.

ವಲಯ–1 : ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ಮತ್ತು ಗೊತ್ತುಪಡಿಸಿದ ಆಗ್ಲೋಮರೇಷನ್ ಪ್ರದೇಶಗಳು ಹಾಗೂ ರಾಜ್ಯದ ಎಲ್ಲಾ ಮಹಾನಗರಪಾಲಿಕೆಗಳು.

ವಲಯ–2 : ವಲಯ–1ರಲ್ಲಿ ನಮೂದಿಸಿರುವ ಪ್ರದೇಶಗಳನ್ನು ಹೊರತುಪಡಿಸಿ ರಾಜ್ಯದ ಇತರೆ ಭಾಗಗಳು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್.ಆರ್. ಪ್ರಭು**

ಪಿ.ಆರ್.55

ಸರ್ಕಾರದ ಅಧೀನ ಕಾರ್ಯದರ್ಶಿ

ಕಾರ್ಮಿಕ ಇಲಾಖೆ.

**ಕಾರ್ಮಿಕ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಕಾಇ 90 ಎಲ್ಎಂಡಬ್ಲ್ಯೂ 2008, ಬೆಂಗಳೂರು, ದಿನಾಂಕ: 06–01–2011**

ಕರ್ನಾಟಕ ರಾಜ್ಯಾದ್ಯಂತ "ಹೋಟೆಲ್" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನವನ್ನು ಪರಿಷ್ಕರಿಸಲು ಸರ್ಕಾರದ ಕರಡು ಪ್ರಸ್ತಾವನೆಯನ್ನು ದಿನಾಂಕ:09–07–2009ರ ಕರ್ನಾಟಕ ರಾಜ್ಯ ಪತ್ರದ ಭಾಗ–4[ಎ]ರಲ್ಲಿ ಪ್ರಕಟಿಸಿ, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಪ್ರಕಾರ ಇದರಿಂದ ಭಾಧಿತರಾಗುವ/ಸಂಬಂಧವಿರುವ ವ್ಯಕ್ತಿಗಳ ಗಮನಕ್ಕೆ ತರಲಾಗಿದ್ದು, ಅವರಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲು 2 ತಿಂಗಳ ಕಾಲಾವಧಿಯನ್ನು ನೀಡಲಾಗಿತ್ತು. ಈ ಅವಧಿಯಲ್ಲಿ ಯಾವುದೇ ಸಲಹೆ/ಆಕ್ಷೇಪಣೆಗಳು ಸರ್ಕಾರದಲ್ಲಿ ಸ್ವೀಕೃತವಾಗಿರುವುದಿಲ್ಲ. ಕರಡು ಪ್ರಸ್ತಾವನೆಯನ್ನು ರಾಜ್ಯ ಕನಿಷ್ಠ ವೇತನ ಸಲಹಾ ಮಂಡಳಿಯ ಮುಂದೆ ಮಂಡಿಸಲಾಗಿತ್ತು. ಸರ್ಕಾರದ ಪ್ರಸ್ತಾವನೆಯನ್ನು ಸುಧೀರ್ಘವಾಗಿ ಸಮಾಲೋಚಿಸಿ ಅಂತಿಮ ಅಧಿಸೂಚನೆಯನ್ನು ಹೊರಡಿಸಲು ಮಂಡಳಿಯು ಸರ್ಕಾರಕ್ಕೆ ತನ್ನ ಶಿಫಾರಸ್ಸನ್ನು ನೀಡಿರುತ್ತದೆ.

ಕರ್ನಾಟಕ ರಾಜ್ಯ ಕನಿಷ್ಠ ವೇತನ ಸಲಹಾ ಮಂಡಳಿಯ ಶಿಫಾರಸ್ಸನ್ನು ಪರಿಗಣನೆಗೆ ತೆಗೆದುಕೊಂಡು, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 3ನೇ ಪ್ರಕರಣದ [1] ನೇ ಉಪ ಪ್ರಕರಣದ (ಬಿ) ಖಂಡ ಹಾಗೂ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಮೂಲಕ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಮತ್ತು ಈ ಹಿಂದಿನ ಎಲ್ಲಾ ಅಧಿಸೂಚನೆಗಳನ್ನು ರದ್ದುಪಡಿಸಿ ಕರ್ನಾಟಕ ರಾಜ್ಯಾದ್ಯಂತ ಯಾವುದೇ "**ಹೋಟೆಲ್**" ಉದ್ದಿಮೆಯ ಯಾವುದೇ ಕೆಲಸದಲ್ಲಿ ತೊಡಗಿರುವ ಕಾರ್ಮಿಕ ವರ್ಗದವರಿಗೆ ದಿನಾಂಕ: 1–4–2010 ರಿಂದ ಅನ್ವಯವಾಗುವಂತೆ ಕನಿಷ್ಠ ವೇತನವನ್ನು ಈ ಅಧಿಸೂಚನೆಯ ಅನುಸೂಚಿಯಲ್ಲಿ ಇರುವಂತೆ ಪರಿಷ್ಕರಿಸಲಾಗಿದೆ.

**ಅನುಸೂಚಿ**

| ಕ್ರ. ಸಂ. | ಕೆಲಸದ ವರ್ಗಗಳು | ಕನಿಷ್ಠ ವೇತನ [ರೂಪಾಯಿಗಳಲ್ಲಿ] | | |
|---|---|---|---|---|
| | | ವಲಯ–1 | ವಲಯ–2 | ವಲಯ–3 |
| 1 | 2 | 3 | 4 | 5 |
| 1 | ಅಡಿಗೆಯವರು/ಸಿಹಿತಿಂಡಿ ಮಾಡುವವರು. | 4160 | 4127 | 4101 |

| ಕ್ರ. ಸಂ. | ಕೆಲಸದ ವರ್ಗಗಳು | ಕನಿಷ್ಠ ವೇತನ [ರೂಪಾಯಿಗಳಲ್ಲಿ] | | |
|---|---|---|---|---|
| | | ವಲಯ–1 | ವಲಯ–2 | ವಲಯ–3 |
| 1 | 2 | 3 | 4 | 5 |
| 2 | ಮೇಲ್ವಿಚಾರಕರು / ಅಡಿಗೆ ಮನೆ ಮೇಲ್ವಿಚಾರಕರು | 4127 | 4101 | 4087 |
| 3 | ಬಾರ್‌ಮನ್ | 4102 | 4088 | 4076 |
| 4 | ಸಹಾಯಕ ಅಡಿಗೆಯವ / ದೋಸೆ ಮಾಡುವವ / ಇಡ್ಲಿ ಮಾಡುವವ / ಚಪಾತಿ ಮಾಡುವವ | 4088 | 4076 | 4056 |
| 5 | ಕೊಠಡಿ ಹುಡುಗ / ಸಹಾಯಕ [ರೂಂಬಾಯ್] | | | |
| 6 | ಕಾಫಿ/ಟೀ ಮಾಡುವವ/ವಿತರಣೆ ಸರಬರಾಜು ಮಾಡುವವ ಬೇರರ್/ ವೈಟರ್, ಬಟ್ಲರ್, ಅರೆಯುವವ ಅಥವಾ ರುಬ್ಬುವವ | 4056 | 3874 | 3847 |
| 7 | ತರಕಾರಿ ಹಚ್ಚುವವ / ಮಾಂಸದ ಚೂರು ಮಾಡುವವ / ಪಾರ್ಸಲ್ ಹುಡುಗ | 3874 | 3837 | 3757 |
| 8 | ನೀರು ಕೊಂಡ್ಯೊಯುವವ / ತೋಟದ ಮಾಲಿ / ದೋಬಿ ಅಥವಾ ಅಗಸ | | | |
| 9 | ಸ್ವಾಗತಕಾರರು | 4160 | 4127 | 4101 |
| 10 | ದೂರವಾಣಿ ನಿರ್ವಾಹಕ | | | |
| 11 | ವಿದ್ಯುತ್ ವಿಷಯಗ್ರಾಹಿ [ಎಲೆಕ್ಟ್ರೀಷಿಯನ್] | 4127 | 4101 | 4087 |
| 12 | ಲಿಫ್ಟ್ ಅಟೆಂಡರ್ | 3874 | 3837 | 3757 |
| 13 | ಲೆಕ್ಕಗಾರ [ಅಕೌಂಟೆಂಟ್] | 4160 | 4127 | 4101 |
| 14 | ಗುಮಾಸ್ತ / ಬೆರಳಚ್ಚುಗಾರ / ನಗದು ಗುಮಾಸ್ತ / ಸರಕು ಗುಮಾಸ್ತ | 4088 | 4076 | 4056 |
| 15 | ಶುಚಿ ಮಾಡುವವರು/ಜವಾನ/ಕಾವಲುಗಾರ / ಕಸಗುಡಿಸುವವರು/ ಕಛೇರಿ ಸಹಾಯಕ ಮತ್ತು ಮೇಲ್ಕಂಡ ಕೆಲಸಗಳಿಗೆ ಹೋಲುವ ರೀತಿಯ ಇನ್ನಾವುದೇ ರೀತಿಯ ಕೆಲಸ ಮಾಡುವವರು. | 3874 | 3847 | 3757 |
| 16 | ಮೇಲ್ಕಂಡ ವರ್ಗಗಳ ಹೊರತುಪಡಿಸಿ ಇನ್ಯಾವುದೇ ರೀತಿಯ ಪರಿಶ್ರಮವಿಲ್ಲದ ಕೆಲಸ ಮಾಡುವವರು. | | | |

**ತುಟ್ಟಿಭತ್ಯೆ:**

ಈ ಅಧಿಸೂಚನೆಯಲ್ಲಿ ಪ್ರಕಟಿಸಿರುವ ದರಗಳನ್ನು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 4 ಪೈಸೆಯಂತೆ ತುಟ್ಟಿಭತ್ಯೆ ನೀಡತಕ್ಕದ್ದು.

ಜೀವನ ನಿರ್ವಹಣಾ ತುಟ್ಟಿಭತ್ಯೆ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ ಸೂಚ್ಯಾಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಎಪ್ರಿಲ್ 1ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

15. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಮಾಸಿಕ ವೇತನವನ್ನು ಪಡೆಯುವವರು:– ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x 30 ದಿನಗಳು= ತುಟ್ಟಿಭತ್ಯೆ

16. ಮಹಿಳೆಯರು ಮತ್ತು ಪುರುಷರು ಒಂದೇ ರೀತಿಯ ಕೆಲಸವನ್ನು ನಿರ್ವಹಿಸಿದ ಸಂದರ್ಭಗಳಲ್ಲಿ ಉಭಯತ್ರರಿಗೂ ಸಮಾನ ದರದ ವೇತನಗಳನ್ನು ಸಂದಾಯ ಮಾಡತಕ್ಕದ್ದು.

17. ಪ್ರಸ್ತುತ ಪಾವತಿಸುತ್ತಿರುವ ವೇತನ ದರವು ಹೆಚ್ಚಾಗಿದ್ದಲ್ಲಿ ಆ ಹೆಚ್ಚಾಗಿರುವ ದರಗಳ ವೇತನವನ್ನು ಸಂದಾಯ ಮಾಡುವುದನ್ನು ಮುಂದುವರೆಸತಕ್ಕದ್ದು.

18. ಅಧಿಸೂಚನೆಯಲ್ಲಿ ವರ್ಗವನ್ನು ನಮೂದಿಸದೆ ಇರುವ ವರ್ಗಗಳ ಕಾರ್ಮಿಕರಿಗೆ ಅದೇ ಸ್ವರೂಪದ ಕೆಲಸ ನಿರ್ವಹಿಸುತ್ತಿರುವ ಇತರೆ ವರ್ಗದ ಕಾರ್ಮಿಕರಿಗೆ ಪಾವತಿ ಮಾಡುತ್ತಿರುವ ವೇತನವನ್ನು ಸಂದಾಯ ಮಾಡತಕ್ಕದ್ದು.
19. ತುಂಡು ಆಧಾರದ ಮೇಲೆ ಕೆಲಸ ಮಾಡುವ ಕಾರ್ಮಿಕರ 8 ಗಂಟೆಗಳ ಕೆಲಸದ ವೇತನವು ಅದೇ ತರಹದ ಕೆಲಸಮಾಡುವ ಕಾರ್ಮಿಕರ ಒಂದು ದಿನದ ವೇತನಕ್ಕಿಂತ ಕಡಿಮೆ ಇರಕೂಡದು. ಒಂದು ದಿನದ ಕೆಲಸ ಎಂದರೆ 8 ಗಂಟೆಗಳ ಕೆಲಸ ಎಂದು ತಿಳಿಯತಕ್ಕದ್ದು. ಕಾರ್ಮಿಕರನ್ನು 8 ಗಂಟೆಗಳಿಗಿಂತ ಕಡಿಮೆ ಅವಧಿಯ ಕೆಲಸಕ್ಕೆ ನೇಮಿಸಿಕೊಂಡರೆ ಅಂತಹ ಕಡಿಮೆ ಅವಧಿಗೆ ಅನುಗುಣವಾಗಿ ವೇತನವನ್ನು ಆ ವರ್ಗದ ದಿನದ ಅಥವಾ ತಿಂಗಳ ವೇತನದ ಆಧಾರದ ಮೇಲೆ ಲೆಕ್ಕ ಹಾಕುವುದು.
20. ದಿನಗೂಲಿ ನೌಕರರಿಗೆ ಅವರ ದಿನದ ವೇತನ ದರಗಳನ್ನು ಕಂಡು ಹಿಡಿಯಬೇಕಾದಲ್ಲಿ ತಿಂಗಳ ವೇತನ ದರವನ್ನು 26 ರಿಂದ ಭಾಗಿಸಬೇಕು. ಭಾಗಿಸಿದಾಗ ಬಂದ ದರವು ಭಿನ್ನಾಂಕವಾಗಿದ್ದಲ್ಲಿ ಅದನ್ನು ಸಮೀಪದ ರೂಪಾಯಿಗೆ ಪೂರ್ಣಗೊಳಿಸಬೇಕು.
21. ಸಂಸ್ಥೆಯಲ್ಲಿ ನಿಗದಿಪಡಿಸಿರುವ ವಾರದ ರಜೆ ಅಥವಾ ಹಬ್ಬದ ರಜಾ ದಿನಗಳಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಟ ವೇತನ ಕಾಯ್ದೆ ಮತ್ತು ನಿಯಮಗಳಿಗೆ ಒಳಪಟ್ಟು ಸಾಮಾನ್ಯ ವೇತನದ ಎರಡುಪಟ್ಟು ವೇತನವನ್ನು ಪಾವತಿ ಮಾಡತಕ್ಕದ್ದು.
22. ಕೆಲಸಗಾರರು ದಿನದ ನಿಗದಿತ ಅವಧಿಗಿಂತ ಹೆಚ್ಚು ಸಮಯ ಕೆಲಸ ನಿರ್ವಹಿಸಿದಲ್ಲಿ ಅಂತಹ ಹೆಚ್ಚುವರಿ ಅವಧಿ ಕೆಲಸಕ್ಕೆ ಆತನ ವೇತನದ ಎರಡುಪಟ್ಟು ವೇತನವನ್ನು ಪಾವತಿಸತಕ್ಕದ್ದು.
23. ವೇತನ ಲೆಕ್ಕಾಚಾರದಲ್ಲಿ ಚಿಲ್ಲರೆ ಬಂದ ಪಕ್ಷದಲ್ಲಿ ಅದನ್ನು ಸಮೀಪದ 50 ಪೈಸೆಗೆ ಪೂರ್ಣಗೊಳಿಸುವುದು.
24. ಅಪ್ರೆಂಟೀಸ್‌ಗಳಿಗೆ ಆ ವರ್ಗದ ನೌಕರರು ಪಡೆಯುತ್ತಿರುವ ವೇತನದ ಪ್ರತಿಶತ 75 ರಷ್ಟು ವೇತನವನ್ನು ಶಿಷ್ಯ ವೇತನವನ್ನಾಗಿ ಪಾವತಿಸತಕ್ಕದ್ದು.

ವಲಯ–1: ಬೆಂಗಳೂರು ಮಹಾನಗರ ಆಗ್ಲೋಮರೇಷನ್ ಪ್ರದೇಶ ಹಾಗೂ ರಾಜ್ಯದ ಎಲ್ಲಾ ಮಹಾನಗರಗಳು ಮತ್ತು ಆಗ್ಲೋಮರೇಷನ್ ಪ್ರದೇಶಗಳು. [ಕಾರ್ಪೊರೇಷನ್ ಇರುವ ಪಟ್ಟಣಗಳು]

ವಲಯ–2: ರಾಜ್ಯದ ಎಲ್ಲಾ ಜಿಲ್ಲಾ ಕೇಂದ್ರಗಳು

ವಲಯ–3: ವಲಯ–1 ಮತ್ತು 2 ರಲ್ಲಿ ನಮೂದಿಸದೇ ಇರುವ ರಾಜ್ಯದ ಇತರೇ ಪ್ರದೇಶಗಳು.

**ಸೂಚನೆ:–** ಕಾರ್ಮಿಕರಿಗೆ ಆಹಾರ ಸರಬರಾಜು ಮಾಡಲಾಗುತ್ತಿದ್ದರೆ ಅಂತಹವರ ಸಂಬಳದಿಂದ ಈ ಅಧಿಸೂಚನೆಯ ಅನುಸೂಚಿಯಲ್ಲಿನ ಆಯಾ ವಲಯಗಳಲ್ಲಿನ ಕನಿಷ್ಟ ವೇತನಗಳಲ್ಲಿ ಯಾವುದು ಅತ್ಯಂತ ಕಡಿಮೆಯೋ ಅದರ ಮೇಲೆ ಶೇ. 15 ರಷ್ಟು ಕಡಿತ ಮಾಡಬಹುದಾಗಿದೆ.

ಗ್ರಾಹಕ ಬೆಲೆ ಸೂಚ್ಯಂಕದಲ್ಲಿ 3944 ಅಂಶಗಳ ಮೇಲೆ ಆಗುವ ಏರಿಕೆ ಇಳಿತಕ್ಕೆ ಅನುಗುಣವಾಗಿ ಜೀವನ ನಿರ್ವಹಣಾ ಭತ್ಯೆಯಲ್ಲಿಯೂ ಆಹಾರ ಸರಬರಾಜಿಗಾಗಿ ಮೇಲ್ಕಂಡ ಸೂತ್ರದಂತೆ ಶೇ.15 ರಷ್ಟು ಕಡಿತ ಅನ್ವಯಿಸುತ್ತದೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್.ಆರ್. ಪ್ರಭು**

ಸರ್ಕಾರದ ಅಧೀನ ಕಾರ್ಯದರ್ಶಿ

ಕಾರ್ಮಿಕ ಇಲಾಖೆ.

ಪಿ.ಆರ್.56

## ಕಾರ್ಮಿಕ ಸಚಿವಾಲಯ

## ಅಧಿಸೂಚನೆ

### ಸಂಖ್ಯೆ: ಕಾಇ 94 ಎಲ್‌ಎಂಡಬ್ಲ್ಯೂ 2009, ಬೆಂಗಳೂರು, ದಿನಾಂಕ: 06–01–2011

ಕರ್ನಾಟಕ ರಾಜ್ಯಾದ್ಯಂತ "**ಮಂಡಕ್ಕಿ ಭಟ್ಟಿ**" ಉದ್ದಿಮೆಯಲ್ಲಿನ ಯಾವುದೇ ಕೆಲಸದಲ್ಲಿ ತೊಡಗಿರುವ ಕಾರ್ಮಿಕರಿಗೆ ಕೆಳಕಂಡ ಅನುಸೂಚಿಯಲ್ಲಿ ನಿರ್ದಿಷ್ಟಪಡಿಸಿರುವಂತೆ ಕನಿಷ್ಟ ವೇತನವನ್ನು ನಿಗದಿಪಡಿಸಲು ಸರ್ಕಾರವು ತೀರ್ಮಾನಿಸಿದೆ. ಕನಿಷ್ಟ ವೇತನ ಕಾಯ್ದೆ 1948ರ [ಕೇಂದ್ರಾಧಿನಿಯಮ ಸಂಖ್ಯೆ: (XI)] 3ನೇ ಪ್ರಕರಣದ 1ನೇ ಉಪ ಪ್ರಕರಣದ (ಎ) ಖಂಡದ ಮತ್ತು 5ನೇ ಪ್ರಕರಣದ (1) ನೇ ಉಪ ಪ್ರಕರಣದ (ಬಿ) ಖಂಡದಲ್ಲಿ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ, ಈ ಅಧಿಸೂಚನೆಯನ್ನು ಪ್ರಕಟಿಸಲಾಗಿದೆ. ಈ ಕರಡು ಪ್ರಸ್ತಾವನೆಯನ್ನು ಕರ್ನಾಟಕ ರಾಜ್ಯ ಪತ್ರದಲ್ಲಿ ಪ್ರಕಟಿಸಿದ ದಿನಾಂಕದಿಂದ 2 ತಿಂಗಳ ಅವಧಿಯೊಳಗೆ ಭಾದಿತರಾಗುವ ವ್ಯಕ್ತಿಗಳಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲಾಗುವುದು. ತದನಂತರ ಬಂದ ಸಲಹೆ/ಆಕ್ಷೇಪಣೆಗಳನ್ನು ಪರಿಗಣಿಸಲಾಗುವುದಿಲ್ಲ. ಸಲಹೆ/ಆಕ್ಷೇಪಣೆಗಳೇನಾದರು ಇದ್ದಲ್ಲಿ ಅದನ್ನು ಸರ್ಕಾರದ ಕಾರ್ಯದರ್ಶಿ, ಕಾರ್ಮಿಕ ಇಲಾಖೆ, ವಿಕಾಸ ಸೌಧ, ಬೆಂಗಳೂರು ಇವರಿಗೆ ಇಲ್ಲವೇ ಕಾರ್ಮಿಕ ಆಯುಕ್ತರು, ಕಾರ್ಮಿಕ ಭವನ, ಬನ್ನೇರುಘಟ್ಟ ರಸ್ತೆ, ಬೆಂಗಳೂರು–29 ಇಲ್ಲಿಗೆ ಸಲ್ಲಿಸಬಹುದಾಗಿರುತ್ತದೆ. ಇದು ಕರಡು ಅಧಿಸೂಚನೆಯಾಗಿರುವುದರಿಂದ ಅನುಸೂಚಿಯಲ್ಲಿ ನಮೂದಿಸಿರುವ ದರಗಳು ಬದಲಾವಣೆಯ ನಿಬಂಧನೆಗೊಳಪಟ್ಟಿರುತ್ತವೆ.

ಕನಿಷ್ಟ ವೇತನ ಕಾಯ್ದೆ 1948ರ ಅಧಿನಿಯಮ 3ನೇ ಪ್ರಕರಣದ 1ನೇ ಉಪ ಪ್ರಕರಣದ (ಎ) ಖಂಡದ ಮತ್ತು 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಮೂಲಕ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಕರ್ನಾಟಕ ಸರ್ಕಾರವು ಈ ಕೆಳಕಂಡ ಅನುಸೂಚಿಯಲ್ಲಿ ನಿರ್ದಿಷ್ಟಪಡಿಸಿರುವಂತೆ, ಕರ್ನಾಟಕ ರಾಜ್ಯಾದ್ಯಂತ ಯಾವುದೇ " **ಮಂಡಕ್ಕಿ ಭಟ್ಟಿ** " ಉದ್ದಿಮೆಯಲ್ಲಿನ ಯಾವುದೇ ಕೆಲಸದಲ್ಲಿ ತೊಡಗಿರುವ ಕಾರ್ಮಿಕ ವರ್ಗದವರಿಗೆ ವೇತನವನ್ನು ಪರಿಷ್ಕರಿಸಲು ಪ್ರಸ್ತಾಪಿಸಿದೆ.

**ಅನುಸೂಚಿ**

| ಕ್ರ. ಸಂ. | ಕೆಲಸದ ವರ್ಗಗಳು | ಕನಿಷ್ಠ ವೇತನ ದರಗಳು ಪ್ರತಿ ದಿನಕ್ಕೆ. [ರೂಪಾಯಿಗಳಲ್ಲಿ] |
|---|---|---|
| **1** | **2** | **3** |
| 1 | ಪುರಿ ಹುರಿಯುವುದು, ಭತ್ತ ಹುರಿಯುವುದು | 150–00 |
| 2 | ಭತ್ತ ಪಾಲಿಷರ್, ಭತ್ತ ಸ್ವಚ್ಛತೆಗಾರ | 135–00 |
| 3 | ಡ್ರೈವರ್ | 150–00 |
| 4 | ಕ್ಲರ್ಕ್ | 135–00 |
| 5 | ಸಹಾಯಕ ಹಾಗೂ ಇತರೆ ಎಲ್ಲಾ ಅರೆ ಕುಶಲ ಕೆಲಸಗಾರರು | 130–00 |
| 6 | ಕುಶಲರಲ್ಲದವರು | 125–00 |

**ತುಟ್ಟಿಭತ್ಯೆ:–**

ಈ ಅಧಿಸೂಚನೆಯಲ್ಲಿ ಪ್ರಕಟಿಸಿರುವ ದರಗಳು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 4 ಪೈಸೆಯಂತೆ ತುಟ್ಟಿ ಭತ್ಯೆ ನೀಡತಕ್ಕದ್ದು.

ತುಟ್ಟಿಭತ್ಯೆ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ ಸೂಚ್ಯಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಏಪ್ರಿಲ್ 1 ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

1. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಅ) ಮಾಸಿಕ ವೇತನವನ್ನು ಪಡೆಯುವವರು:–

ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x30 ದಿನಗಳು= ತುಟ್ಟಿಭತ್ಯೆ

ಆ) ದಿನಗೂಲಿ ವೇತನ ಪಡೆಯುವವರು :–

ಪ್ರತಿ ವರ್ಷ ಹೆಚ್ಚಾಗುವ ಅಂಶಗಳು x ತುಟ್ಟಿಭತ್ಯೆಯ ದರ x 30 = ತುಟ್ಟಿಭತ್ಯೆ

26

2. ಮಹಿಳೆಯರು ಮತ್ತು ಪುರುಷರು ಒಂದೇ ರೀತಿಯ ಕೆಲಸವನ್ನು ನಿರ್ವಹಿಸಿದ ಸಂದರ್ಭಗಳಲ್ಲಿ ಉಭಯತ್ರರಿಗೂ ಸಮಾನ ದರದ ವೇತನಗಳನ್ನು ಸಂದಾಯ ಮಾಡತಕ್ಕದ್ದು.
3. ಪ್ರಸ್ತುತ ಪಾವತಿಸುತ್ತಿರುವ ವೇತನ ದರವು ಹೆಚ್ಚಾಗಿದ್ದಲ್ಲಿ ಆ ಹೆಚ್ಚಾಗಿರುವ ದರಗಳ ವೇತನವನ್ನು ಸಂದಾಯ ಮಾಡುವುದನ್ನು ಮುಂದುವರೆಸತಕ್ಕದ್ದು.
4. ಅಧಿಸೂಚನೆಯಲ್ಲಿ ವರ್ಗವನ್ನು ನಮೂದಿಸದೆ ಇರುವ ವರ್ಗಗಳ ಕಾರ್ಮಿಕರಿಗೆ ಅದೇ ಸ್ವರೂಪದ ಕೆಲಸ ನಿರ್ವಹಿಸುತ್ತಿರುವ ಇತರೆ ವರ್ಗದ ಕಾರ್ಮಿಕರಿಗೆ ಪಾವತಿ ಮಾಡುತ್ತಿರುವ ವೇತನವನ್ನು ಸಂದಾಯ ಮಾಡತಕ್ಕದ್ದು.
5. ತುಂಡು ಆಧಾರದ ಮೇಲೆ ಕೆಲಸ ಮಾಡುವ ಕಾರ್ಮಿಕರ 8 ಗಂಟೆಗಳ ಕೆಲಸದ ವೇತನವು ಅದೇ ತರಹದ ಕೆಲಸಮಾಡುವ ಕಾರ್ಮಿಕರ ಒಂದು ದಿನದ ವೇತನಕ್ಕಿಂತ ಕಡಿಮೆ ಇರಕೂಡದು. ಒಂದು ದಿನದ ಕೆಲಸ ಎಂದರೆ 8 ಗಂಟೆಗಳ ಕೆಲಸ ಎಂದು ತಿಳಿಯತಕ್ಕದ್ದು. ಕಾರ್ಮಿಕರನ್ನು 8 ಗಂಟೆಗಳಿಗಿಂತ ಕಡಿಮೆ ಅವಧಿಯ ಕೆಲಸಕ್ಕೆ ನೇಮಿಸಿಕೊಂಡರೆ ಅಂತಹ ಕಡಿಮೆ ಅವಧಿಗೆ ಅನುಗುಣವಾಗಿ ವೇತನವನ್ನು ಆ ವರ್ಗದ ದಿನದ ಅಥವಾ ತಿಂಗಳ ವೇತನದ ಆಧಾರದ ಮೇಲೆ ಲೆಕ್ಕ ಹಾಕುವುದು.
6. ದಿನಗೂಲಿ ನೌಕರರಿಗೆ ಅವರ ದಿನದ ವೇತನ ದರಗಳನ್ನು ಕಂಡು ಹಿಡಿಯಬೇಕಾದಲ್ಲಿ ತಿಂಗಳ ವೇತನ ದರವನ್ನು 26 ರಿಂದ ಭಾಗಿಸಬೇಕು. ಭಾಗಿಸಿದಾಗ ಬಂದ ದರವು ಭಿನ್ನಾಂಕವಾಗಿದ್ದಲ್ಲಿ ಅದನ್ನು ಸಮೀಪದ ರೂಪಾಯಿಗೆ ಪೂರ್ಣಗೊಳಿಸಬೇಕು.
7. ಸಂಸ್ಥೆಯಲ್ಲಿ ನಿಗದಿಪಡಿಸಿರುವ ವಾರದ ರಜೆ ಅಥವಾ ಹಬ್ಬದ ರಜಾ ದಿನಗಳಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನ ಕಾಯ್ದೆ ಮತ್ತು ನಿಯಮಗಳಿಗೆ ಒಳಪಟ್ಟು ಸಾಮಾನ್ಯ ವೇತನದ ಎರಡುಪಟ್ಟು ವೇತನವನ್ನು ಪಾವತಿ ಮಾಡತಕ್ಕದ್ದು.

8. ಕೆಲಸಗಾರರು ದಿನದ ನಿಗಧಿತ ಅವಧಿಗಿಂತ ಹೆಚ್ಚು ಸಮಯ ಕೆಲಸ ನಿರ್ವಹಿಸಿದಲ್ಲಿ ಅಂತಹ ಹೆಚ್ಚುವರಿ ಅವಧಿ ಕೆಲಸಕ್ಕೆ ಆತನ ವೇತನದ ಎರಡುಪಟ್ಟು ವೇತನವನ್ನು ಪಾವತಿಸತಕ್ಕದ್ದು.
9. ವೇತನ ಲೆಕ್ಕಾಚಾರದಲ್ಲಿ ಚಿಲ್ಲರೆ ಬಂದ ಪಕ್ಷದಲ್ಲಿ ಅದನ್ನು ಸಮೀಪದ 50 ಪೈಸೆಗೆ ಪೂರ್ಣಗೊಳಿಸುವುದು.
10. ಅಪ್ರೆಂಟೀಸ್‌ಗಳಿಗೆ ಆ ವರ್ಗದ ನೌಕರರು ಪಡೆಯುತ್ತಿರುವ ವೇತನದ ಪ್ರತಿಶತ 75 ರಷ್ಟು ವೇತನವನ್ನು ಶಿಷ್ಯ ವೇತನವನ್ನಾಗಿ ಪಾವತಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್.ಆರ್. ಪ್ರಭು**

ಪಿ.ಆರ್.57

ಸರ್ಕಾರದ ಅಧೀನ ಕಾರ್ಯದರ್ಶಿ

ಕಾರ್ಮಿಕ ಇಲಾಖೆ.

**ಕಾರ್ಮಿಕ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಕಾಇ 189 ಎಲ್‌ಎಂಡಬ್ಲ್ಯೂ 2007, ಬೆಂಗಳೂರು, ದಿನಾಂಕ: 06-01-2011**

ಕರ್ನಾಟಕ ರಾಜ್ಯಾದ್ಯಂತ "ಪಬ್ಲಿಕ್ ಮೋಟಾರ್ ಟ್ರಾನ್ಸ್‌ಪೋರ್ಟ್" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಠ ವೇತನವನ್ನು ಪರಿಷ್ಕರಿಸಲು ಸರ್ಕಾರದ ಕರಡು ಪ್ರಸ್ತಾವನೆಯನ್ನು ಕರ್ನಾಟಕ ರಾಜ್ಯ ಪತ್ರದ ವಿಶೇಷ ಪತ್ರಿಕೆ ಭಾಗ-4 [ಎ], ರಲ್ಲಿ ದಿನಾಂಕ: 24-4-2008 ರಂದು ಪ್ರಕಟಿಸಿ, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಪ್ರಕಾರ ಇದರಿಂದ ಭಾಧಿತರಾಗುವ/ಸಂಬಂಧವಿರುವ ವ್ಯಕ್ತಿಗಳ ಗಮನಕ್ಕೆ ತರಲಾಗಿದ್ದು, ಅವರಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲು 2 ತಿಂಗಳ ಕಾಲಾವಧಿಯನ್ನು ನೀಡಲಾಗಿತ್ತು. ಈ ಅವಧಿಯಲ್ಲಿ ಯಾವುದೇ ಸಲಹೆ/ಆಕ್ಷೇಪಣೆಗಳು ಸರ್ಕಾರದಲ್ಲಿ ಸ್ವೀಕೃತವಾಗಿರುವುದಿಲ್ಲ. ಕರಡು ಪ್ರಸ್ತಾವನೆಯನ್ನು ಕನಿಷ್ಠ ವೇತನ ಸಲಹಾ ಮಂಡಳಿಯ ಮುಂದೆ ಮಂಡಿಸಲಾಗಿತ್ತು. ಸದರಿ ಮಂಡಳಿಯಲ್ಲಿ ಸರ್ಕಾರದ ಪ್ರಸ್ತಾವನೆಯನ್ನು ಸುಧೀರ್ಘವಾಗಿ ಸಮಾಲೋಚಿಸಿ ಅಂತಿಮ ಅಧಿಸೂಚನೆಯನ್ನು ಹೊರಡಿಸಲು ಮಂಡಳಿಯು ಸರ್ಕಾರಕ್ಕೆ ತನ್ನ ಶಿಫಾರಸ್ಸನ್ನು ನೀಡಿರುತ್ತದೆ.

ಕರ್ನಾಟಕ ರಾಜ್ಯ ಕನಿಷ್ಠ ವೇತನ ಸಲಹಾ ಮಂಡಳಿಯ ಶಿಫಾರಸ್ಸನ್ನು ಪರಿಗಣನೆಗೆ ತೆಗೆದುಕೊಂಡು, ಕನಿಷ್ಠ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 3ನೇ ಪ್ರಕರಣದ [1] ನೇ ಉಪ ಪ್ರಕರಣದ (ಬಿ) ಖಂಡ ಹಾಗೂ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಮೂಲಕ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಮತ್ತು ಈ ಹಿಂದಿನ ಎಲ್ಲಾ ಅಧಿಸೂಚನೆಗಳನ್ನು ರದ್ದುಪಡಿಸಿ ಕರ್ನಾಟಕ ರಾಜ್ಯಾದ್ಯಂತ **"ಪಬ್ಲಿಕ್ ಮೋಟಾರ್ ಟ್ರಾನ್ಸ್‌ಪೋರ್ಟ್"** ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ದಿನಾಂಕ: 1-4-2010 ರಿಂದ ಅನ್ವಯವಾಗುವಂತೆ ಕನಿಷ್ಠ ವೇತನವನ್ನು ಈ ಅಧಿಸೂಚನೆಯ ಅನುಸೂಚಿಯಲ್ಲಿ ಇರುವಂತೆ ಪರಿಷ್ಕರಿಸಲಾಗಿದೆ.

**ಅನುಸೂಚಿ**

| ಕ್ರಮ ಸಂಖ್ಯೆ | ಕೆಲಸದ ವರ್ಗಗಳು | ಕನಿಷ್ಠ ವೇತನ ತಿಂಗಳಿಗೆ [ರೂಪಾಯಿಗಳಲ್ಲಿ] |
|---|---|---|
| 1 | 2 | 3 |
| | **ಆಪರೇಷನಲ್ ಸ್ಟಾಫ್** | |
| 1 | ಡ್ರೈವರ್ | 4095 |
| 2 | ಚೆಕಿಂಗ್ ಇನ್ಸ್‌ಪೆಕ್ಟರ್/ಟ್ರಾಫಿಕ್ ಸೂಪರ್‌ವೈಸರ್ | 3856 |
| 3 | ಕಂಡಕ್ಟರ್ | 3479 |
| 4 | ಕ್ಲೀನರ್ ಅಟಾಚ್ಡು ಟು ಲಾರೀಸ್ | 3898 |
| | **ಕಛೇರಿ ಸಿಬ್ಬಂದಿ** | |
| 5 | ಅಕೌಂಟೆಂಟ್ | 3898 |
| 6 | ಕ್ಯಾಷಿಯರ್ | |
| 7 | ಗುಮಾಸ್ತ, ಬುಕಿಂಗ್ ಏಜೆಂಟ್ ಮತ್ತು ಅಸಿಸ್ಟೆಂಟ್ ಕ್ಯಾಷಿಯರ್ | 3856 |
| 8 | ಟೈಂ ಕೀಪರ್ | 3814 |
| | **ವರ್ಕ್‌ಶಾಪ್ ಸ್ಟಾಫ್** | **ಕನಿಷ್ಠ ವೇತನ ತಿಂಗಳಿಗೆ [ರೂಪಾಯಿಗಳಲ್ಲಿ]** |
| 9 | ಕ್ಲೀನರ್ | 2419 |

| | | |
|---|---|---|
| 10 | ಗ್ರೀಸರ್ | 3437 |
| 11 | ಆಯಿಲರ್ | |
| 12 | ಕಾವಲುಗಾರ | |
| 13 | **ಕುಶಲರಲ್ಲದ ಕೆಲಸಗಾರರು** :ಜವಾನ, ಆಫೀಸ್ ಬಾಯ್, ಕೆಲಸಗಾರರು ಮತ್ತು ಹೆಲ್ಪರ್ | |
| 14 | ಫಿಟ್ಟರ್ | 3835 |
| 15 | ಆಟೋ ಫಿಟ್ಟರ್ | |
| 16 | **ಹ್ಯಾಮರ್ ಮ್ಯಾನ್** | 3598 |
| 17 | ಅಸಿಸ್ಟೆಂಟ್ ಮೆಕ್ಯಾನಿಕ್ | 3898 |
| 18 | ಟಿಂಕರ್ | |
| 19 | ಲೈನರ್ | |
| 20 | ಪೈಂಟರ್ | |
| 21 | ಎಲೆಕ್ಟ್ರೀಷಿಯನ್ | |
| 22 | ಟರ್ನರ್ | |
| 23 | ಟಿನ್‌ಸ್ಮಿತ್ | |
| 24 | ಬ್ಯಾಟರಿಮ್ಯಾನ್ | |
| 25 | ಆರ್ಟಿಸ್ಯಾನ್–ಬಿ | |
| 26 | ವಾಲ್ಕನೈಸರ್ | |
| 27 | ಮೆಕ್ಯಾನಿಸ್ಟ್ | |
| 28 | ಕಾರ್ಪೆಂಟರ್ | 3800 |
| 29 | ಬ್ಲಾಕ್‌ಸ್ಮಿತ್ | |
| 30 | ವೆಲ್ಡರ್ | |
| 31 | ಅಸಿಸ್ಟೆಂಟ್ ಆರಿಸ್ಟಿಸಾನ್ [ಆಲ್ ಟ್ರೇಡ್ಸ್] | 3598 |
| 32 | **ಆರ್ಟಿಸ್ಯಾನ್–ಎ [ಆಲ್ ಟ್ರೇಡ್ಸ್]** | 3909 |

**ತುಟ್ಟಿಭತ್ಯೆ:**

ಈ ಅಧಿಸೂಚನೆಯಲ್ಲಿ ಪ್ರಕಟಿಸಿರುವ ದರಗಳು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 3 ಪೈಸೆಯಂತೆ ತುಟ್ಟಿಭತ್ಯೆ ನೀಡತಕ್ಕದ್ದು.

ತುಟ್ಟಿಭತ್ಯೆ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ ಸೂಚ್ಯಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಏಪ್ರಿಲ್ 1 ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

1. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಮಾಸಿಕ ವೇತನವನ್ನು ಪಡೆಯುವವರು:– ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x 30 ದಿನಗಳು= ತುಟ್ಟಿಭತ್ಯೆ

2. ಮಹಿಳೆಯರು ಮತ್ತು ಪುರುಷರು ಒಂದೇ ರೀತಿಯ ಕೆಲಸವನ್ನು ನಿರ್ವಹಿಸಿದ ಸಂದರ್ಭಗಳಲ್ಲಿ ಉಭಯತ್ರರಿಗೂ ಸಮಾನ ದರದ ವೇತನಗಳನ್ನು ಸಂದಾಯ ಮಾಡತಕ್ಕದ್ದು.
3. ಪ್ರಸ್ತುತ ಪಾವತಿಸುತ್ತಿರುವ ವೇತನ ದರವು ಹೆಚ್ಚಾಗಿದ್ದಲ್ಲಿ ಆ ಹೆಚ್ಚಾಗಿರುವ ದರಗಳ ವೇತನವನ್ನು ಸಂದಾಯ ಮಾಡುವುದನ್ನು ಮುಂದುವರೆಸತಕ್ಕದ್ದು.
4. ಅಧಿಸೂಚನೆಯಲ್ಲಿ ವರ್ಗವನ್ನು ನಮೂದಿಸದೆ ಇರುವ ವರ್ಗಗಳ ಕಾರ್ಮಿಕರಿಗೆ ಅದೇ ಸ್ವರೂಪದ ಕೆಲಸ ನಿರ್ವಹಿಸುತ್ತಿರುವ ಇತರೆ ವರ್ಗದ ಕಾರ್ಮಿಕರಿಗೆ ಪಾವತಿ ಮಾಡುತ್ತಿರುವ ವೇತನವನ್ನು ಸಂದಾಯ ಮಾಡತಕ್ಕದ್ದು.

5. ತುಂಡು ಆಧಾರದ ಮೇಲೆ ಕೆಲಸ ಮಾಡುವ ಕಾರ್ಮಿಕರ 8 ಗಂಟೆಗಳ ಕೆಲಸದ ವೇತನವು ಅದೇ ತರಹದ ಕೆಲಸಮಾಡುವ ಕಾರ್ಮಿಕರ ಒಂದು ದಿನದ ವೇತನಕ್ಕಿಂತ ಕಡಿಮೆ ಇರಕೂಡದು. ಒಂದು ದಿನದ ಕೆಲಸ ಎಂದರೆ 8 ಗಂಟೆಗಳ ಕೆಲಸ ಎಂದು ತಿಳಿಯತಕ್ಕದ್ದು. ಕಾರ್ಮಿಕರನ್ನು 8 ಗಂಟೆಗಳಿಗಿಂತ ಕಡಿಮೆ ಅವಧಿಯ ಕೆಲಸಕ್ಕೆ ನೇಮಿಸಿಕೊಂಡರೆ ಅಂತಹ ಕಡಿಮೆ ಅವಧಿಗೆ ಅನುಗುಣವಾಗಿ ವೇತನವನ್ನು ಆ ವರ್ಗದ ದಿನದ ಅಥವಾ ತಿಂಗಳ ವೇತನದ ಆಧಾರದ ಮೇಲೆ ಲೆಕ್ಕ ಹಾಕುವುದು.
6. ದಿನಗೂಲಿ ನೌಕರರಿಗೆ ಅವರ ದಿನದ ವೇತನ ದರಗಳನ್ನು ಕಂಡು ಹಿಡಿಯಬೇಕಾದಲ್ಲಿ ತಿಂಗಳ ವೇತನ ದರವನ್ನು 26 ರಿಂದ ಭಾಗಿಸಬೇಕು. ಭಾಗಿಸಿದಾಗ ಬಂದ ದರವು ಭಿನ್ನಾಂಕವಾಗಿದ್ದಲ್ಲಿ ಅದನ್ನು ಸಮೀಪದ ರೂಪಾಯಿಗೆ ಪೂರ್ಣಗೊಳಿಸಬೇಕು.
7. ಸಂಸ್ಥೆಯಲ್ಲಿ ನಿಗದಿಪಡಿಸಿರುವ ವಾರದ ರಜೆ ಅಥವಾ ಹಬ್ಬದ ರಜಾ ದಿನಗಳಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಟ ವೇತನ ಕಾಯ್ದೆ ಮತ್ತು ನಿಯಮಗಳಿಗೆ ಒಳಪಟ್ಟು ಸಾಮಾನ್ಯ ವೇತನದ ಎರಡುಪಟ್ಟು ವೇತನವನ್ನು ಪಾವತಿ ಮಾಡತಕ್ಕದ್ದು.
8. ಕೆಲಸಗಾರರು ದಿನದ ನಿಗಧಿತ ಅವಧಿಗಿಂತ ಹೆಚ್ಚು ಸಮಯ ಕೆಲಸ ನಿರ್ವಹಿಸಿದಲ್ಲಿ ಅಂತಹ ಹೆಚ್ಚುವರಿ ಅವಧಿ ಕೆಲಸಕ್ಕೆ ಆತನ ವೇತನದ ಎರಡುಪಟ್ಟು ವೇತನವನ್ನು ಪಾವತಿಸತಕ್ಕದ್ದು.
9. ವೇತನ ಲೆಕ್ಕಾಚಾರದಲ್ಲಿ ಚಿಲ್ಲರೆ ಬಂದ ಪಕ್ಷದಲ್ಲಿ ಅದನ್ನು ಸಮೀಪದ 50 ಪೈಸೆಗೆ ಪೂರ್ಣಗೊಳಿಸುವುದು.
10. ಅಪ್ರೆಂಟೀಸ್‌ಗಳಿಗೆ ಆ ವರ್ಗದ ನೌಕರರು ಪಡೆಯುತ್ತಿರುವ ವೇತನದ ಪ್ರತಿಶತ 75 ರಷ್ಟು ವೇತನವನ್ನು ಶಿಷ್ಯ ವೇತನವನ್ನಾಗಿ ಪಾವತಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎನ್.ಆರ್. ಪ್ರಭು**

ಪಿ.ಆರ್.58

ಸರ್ಕಾರದ ಅಧೀನ ಕಾರ್ಯದರ್ಶಿ

ಕಾರ್ಮಿಕ ಇಲಾಖೆ.

## ಕಾರ್ಮಿಕ ಸಚಿವಾಲಯ

## ಅಧಿಸೂಚನೆ

**ಸಂಖ್ಯೆ: ಕಾಇ 187 ಎಲ್ಎಂಡಬ್ಲ್ಯೂ 2007, ಬೆಂಗಳೂರು, ದಿನಾಂಕ: 06–01–2011**

ಕರ್ನಾಟಕ ರಾಜ್ಯಾದ್ಯಂತ "ಆಯುರ್ವೇದಿಕ್ ಮತ್ತು ಅಲೋಪಥಿಕ್ ಔಷಧಿ ತಯಾರಿಕಾ" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ಕನಿಷ್ಟ ವೇತನವನ್ನು ಪರಿಷ್ಕರಿಸಲು ಸರ್ಕಾರದ ಕರಡು ಪ್ರಸ್ತಾವನೆಯನ್ನು ಕರ್ನಾಟಕ ರಾಜ್ಯ ಪತ್ರದ ವಿಶೇಷ ಪತ್ರಿಕೆ ಭಾಗ–4 [ಎ], ರಲ್ಲಿ ದಿನಾಂಕ: 8–4–2008 ರಂದು ಪ್ರಕಟಿಸಿ, ಕನಿಷ್ಟ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಪ್ರಕಾರ ಇದರಿಂದ ಭಾಧಿತರಾಗುವ/ಸಂಬಂಧವಿರುವ ವ್ಯಕ್ತಿಗಳ ಗಮನಕ್ಕೆ ತರಲಾಗಿದ್ದು, ಅವರಿಂದ ಸಲಹೆ/ಆಕ್ಷೇಪಣೆಗಳನ್ನು ಸ್ವೀಕರಿಸಲು 2 ತಿಂಗಳ ಕಾಲಾವಧಿಯನ್ನು ನೀಡಲಾಗಿತ್ತು. ಈ ಅವಧಿಯಲ್ಲಿ ಯಾವುದೇ ಸಲಹೆ/ಆಕ್ಷೇಪಣೆಗಳು ಸರ್ಕಾರದಲ್ಲಿ ಸ್ವೀಕೃತವಾಗಿರುವುದಿಲ್ಲ. ಕರಡು ಪ್ರಸ್ತಾವನೆಯನ್ನು ಕನಿಷ್ಟ ವೇತನ ಸಲಹಾ ಮಂಡಳಿಯ ಮುಂದೆ ಮಂಡಿಸಲಾಗಿತ್ತು. ಸದರಿ ಮಂಡಳಿಯಲ್ಲಿ ಸರ್ಕಾರದ ಪ್ರಸ್ತಾವನೆಯನ್ನು ಸುಧೀರ್ಘವಾಗಿ ಸಮಾಲೋಚಿಸಿ ಅಂತಿಮ ಅಧಿಸೂಚನೆಯನ್ನು ಹೊರಡಿಸಲು ಮಂಡಳಿಯು ಸರ್ಕಾರಕ್ಕೆ ತನ್ನ ಶಿಫಾರಸ್ಸನ್ನು ನೀಡಿರುತ್ತದೆ.

ಕರ್ನಾಟಕ ರಾಜ್ಯ ಕನಿಷ್ಟ ವೇತನ ಸಲಹಾ ಮಂಡಳಿಯ ಶಿಫಾರಸ್ಸನ್ನು ಪರಿಗಣನೆಗೆ ತೆಗೆದುಕೊಂಡು, ಕನಿಷ್ಟ ವೇತನ ಕಾಯ್ದೆ 1948 [ಕೇಂದ್ರಾಧಿನಿಯಮ ಸಂಖ್ಯೆ: 11] ರ 3ನೇ ಪ್ರಕರಣದ [1] ನೇ ಉಪ ಪ್ರಕರಣದ (ಬಿ) ಖಂಡ ಹಾಗೂ 5ನೇ ಪ್ರಕರಣದ (1)ನೇ ಉಪ ಪ್ರಕರಣದ (ಬಿ) ಖಂಡದ ಮೂಲಕ ಪ್ರದತ್ತವಾದ ಅಧಿಕಾರವನ್ನು ಚಲಾಯಿಸಿ ಮತ್ತು ಈ ಹಿಂದಿನ ಎಲ್ಲಾ ಅಧಿಸೂಚನೆಗಳನ್ನು ರದ್ದುಪಡಿಸಿ ಕರ್ನಾಟಕ ರಾಜ್ಯಾದ್ಯಂತ "**ಆಯುರ್ವೇದಿಕ್ ಮತ್ತು ಅಲೋಪಥಿಕ್ ಔಷಧಿ ತಯಾರಿಕಾ**" ಉದ್ದಿಮೆಯಲ್ಲಿ ಕೆಲಸ ಮಾಡುವ ಕಾರ್ಮಿಕರಿಗೆ ದಿನಾಂಕ: 1–4–2010 ರಿಂದ ಅನ್ವಯವಾಗುವಂತೆ ಕನಿಷ್ಟ ವೇತನವನ್ನು ಈ ಅಧಿಸೂಚನೆಯ ಅನುಸೂಚಿಯಲ್ಲಿ ಇರುವಂತೆ ಪರಿಷ್ಕರಿಸಲಾಗಿದೆ.

**ಅನುಸೂಚಿ**

| ಕ್ರ. ಸಂ. | | ಕನಿಷ್ಟ ವೇತನ ಪ್ರತಿ ತಿಂಗಳಿಗೆ [ರೂಪಾಯಿಗಳಲ್ಲಿ] | | |
|---|---|---|---|---|
| | | ವಲಯ–1 | ವಲಯ–2 | ವಲಯ–3 |
| 1 | 2 | 3 | 4 | 5 |
| | **1. ಅತಿ ಕುಶಲ ಕಾರ್ಮಿಕರು** | | | |
| 1. | ಕ್ವಾಲಿಟಿ ಕಂಟ್ರೋಲ್ ಕೆಮಿಸ್ಟ್ | 4565 | 4499 | 4466 |
| 2. | ಪ್ರೊಡಕ್ಷನ್ ಇನ್‌ಚಾರ್ಜ್ | | | |
| 3. | ಸೂಪರ್‌ವೈಸರ್ | | | |
| | **2. ಕುಶಲ ಕಾರ್ಮಿಕರು** | | | |
| 1. | ಫಾರ್ಮಸಿಸ್ಟ್ | 4042 | 3976 | 3942 |
| 2. | ಕೆಮಿಸ್ಟ್ | | | |
| 3. | ಬಾಯಲಿಂಗ್ ಫೌಂಡ್ರಿಂಗ್ ಮತ್ತು ಕಟ್ಟಿಂಗ್ | | | |

| | | | | |
|---|---|---|---|---|
| 4. | ಮೆಷಿನಿಸ್ಟ್ | 4042 | 3976 | 3942 |
| 5. | ಎಲೆಕ್ಟ್ರಿಷಿಯನ್ | | | |
| 6. | ಮೆಷಿನ್ ಅಪರೇಟರ್ | | | |
| 7. | ಅಪರೇಟರ್ಸ್ | | | |
| 8. | ಔಷಧಿ ತಯಾರು ಮಾಡುವವರು ಇತರೇ ಕುಶಲ ಕೆಲಸಕ್ಕೆ. | | | |
| | **3. ಅರೆ ಕುಶಲ ಕಾರ್ಮಿಕರು** | | | |
| 1. | ಅಸಿಸ್ಟೆಂಟ್ ಫಾರ್ಮುಸಿಸ್ಟ್ | 3868 | 3802 | 3769 |
| 2. | ಲ್ಯಾಬ್ ಅಸಿಸ್ಟೆಂಟ್ | | | |
| 3. | ಸ್ಟೋರ್ಸ್ ಇನ್‌ಚಾರ್ಜ್ | | | |
| 4. | ಅಸಿಸ್ಟೆಂಟ್ ಎಲೆಕ್ಟ್ರಿಷಿಯನ್ | | | |
| 5. | ಸೇಲ್ಸ್‌ಮನ್ ಇತರೇ ಅರೆ ಕುಶಲ ಕಾರ್ಮಿಕರು | | | |
| | **4. ಕುಶಲರಲ್ಲದವರು** | | | |
| 1. | ಫಿಲ್ಲಿಂಗ್ ಅಂಡ್ ಸೀಲಿಂಗ್ | 3609 | 3600 | 3594 |
| 2. | ಸ್ಪ್ರೇಯರ್ | | | |
| 3. | ಕಟ್ಟಿಂಗ್ | | | |
| 4. | ಮೆಷಿನ್ ಹೆಲ್ಪರ್ / ಹೆಲ್ಪರ್ | | | |
| 5. | ಲೇಬಲಿಂಗ್ | | | |
| 6. | ಫ್ಯಾಕರ್ಸ್ | | | |
| 7. | ಸಹಾಯಕರು | | | |
| 8. | ಕ್ಲೀನರ್ | | | |
| 9. | ಮಜ್ದೂರ್ಸ್ | | | |
| 10. | ಸ್ವೀಪರ್ಸ್ ಇತರೇ ಕುಶಲರಲ್ಲದವರ ಕೆಲಸಕ್ಕೆ | | | |
| | **5. ಕಛೇರಿ ಸಿಬ್ಬಂದಿ** | | | |
| 1. | ಅಕೌಂಟೆಂಟ್ | 3902 | 3765 | 3748 |
| 2. | ಗುಮಾಸ್ತ | 3720 | 3665 | 3637 |
| 3. | ಬೆರಳಚ್ಚುಗಾರರು | | | |
| 4. | ಡ್ರೈವರ್ | 3650 | 3623 | 3608 |
| 5. | ಆಫೀಸ್ ಬಾಯ್ | 3609 | 3600 | 3594 |
| 6. | ಪ್ಯೂನ್ / ಜವಾನ | | | |

**ತುಟ್ಟಿಭತ್ಯೆ:**

ಈ ಅಧಿಸೂಚನೆಯಲ್ಲಿ ಪ್ರಕಟಿಸಿರುವ ದರಗಳನ್ನು ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ (1960–100) 3944 ಅಂಶಗಳಿಗೆ ವಿಲೀನಗೊಳಿಸಲಾಗಿದೆ. ರಾಜ್ಯ ಸರಾಸರಿ ಗ್ರಾಹಕ ಬೆಲೆ ಸೂಚ್ಯಾಂಕ 3944 ಅಂಶಗಳಿಗಿಂತ ಹೆಚ್ಚಾಗುವ ಪ್ರತಿ ಅಂಶಕ್ಕೆ ಎಲ್ಲಾ ವರ್ಗದ ಕಾರ್ಮಿಕರಿಗೆ ದಿನ ಒಂದಕ್ಕೆ 3 ಪೈಸೆಯಂತೆ ತುಟ್ಟಿಭತ್ಯೆ ನೀಡತಕ್ಕದ್ದು.

ಜೀವನ ನಿರ್ವಹಣಾ ತುಟ್ಟಿಭತ್ಯೆ ಲೆಕ್ಕಾಚಾರವನ್ನು ವರ್ಷಕ್ಕೊಮ್ಮೆ ಮಾಡಲಾಗುತ್ತದೆ. ಹಿಂದಿನ ಕ್ಯಾಲೆಂಡರ್ ವರ್ಷದ 12 ತಿಂಗಳುಗಳ ಗ್ರಾಹಕ ಬೆಲೆ ಸೂಚ್ಯಾಂಕಗಳ ಸರಾಸರಿ ಆಧಾರದ ಮೇಲೆ ಏಪ್ರಿಲ್ ಮೊದಲನೇ ದಿನಾಂಕದಂದು ಪ್ರತಿ ವರ್ಷ ಲೆಕ್ಕಾಚಾರ ಮಾಡತಕ್ಕದ್ದು. ಅಲ್ಲದೇ ಗ್ರಾಹಕ ಬೆಲೆ ಸೂಚ್ಯಾಂಕಗಳ ಸಂಖ್ಯೆಯ ವಾರ್ಷಿಕ ಸರಾಸರಿ ಆಧಾರದ ಮೇಲೆ ಹೆಚ್ಚುವರಿಯಾದ ಅಥವಾ ಕಡಿಮೆಯಾದ ಪ್ರಮಾಣವನ್ನು ಆಧರಿಸಿ ಲೆಕ್ಕ ಹಾಕಲಾಗುತ್ತದೆ. ಆದ್ದರಿಂದ ಮೊದಲ ಲೆಕ್ಕಾಚಾರವು ಗ್ರಾಹಕ ಬೆಲೆ ಸೂಚ್ಯಾಂಕದ (ಜನವರಿ 2010 ರಿಂದ ಡಿಸೆಂಬರ್ 2010)ರ ಸರಾಸರಿ ಆಧಾರದ ಮೇಲೆ 2011 ಎಪ್ರಿಲ್ 1ನೇ ತಾರೀಖಿನಿಂದ ಜಾರಿಗೆ ಬರುತ್ತದೆ.

1. ದಿನಗೂಲಿ ಗಳಿಕೆದಾರರ ಸಂದರ್ಭದಲ್ಲಿ ಮಾಸಿಕ ವೇತನ ದರಗಳನ್ನು 26 ದಿನಗಳಿಂದ ವಿಭಾಗಿಸಿ, 4 ರಜಾ ದಿನಗಳಿಗೆ ವೇತನವನ್ನು ನೀಡುವುದೂ ಸೇರಿಂತೆ ಲೆಕ್ಕ ಹಾಕತಕ್ಕದ್ದು.

**ತುಟ್ಟಿಭತ್ಯೆಯನ್ನು ಲೆಕ್ಕಾಚಾರ ಮಾಡುವ ವಿಧಾನ:**

ಮಾಸಿಕ ವೇತನವನ್ನು ಪಡೆಯುವವರು:– ಪ್ರತಿ ವರ್ಷ ಹೆಚ್ಚಾಗುವ ಸಿ.ಪಿ.ಐ ಅಂಶಗಳು x ತುಟ್ಟಿಭತ್ಯೆಯ ದರ x30 ದಿನಗಳು= ತುಟ್ಟಿಭತ್ಯೆ

